ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ಪರೀಕ್ಷಾ ಪ್ರಶ್ನೆ ಪತ್ರಿಕೆಗಳು ಸೋರಿಕೆಯಾಗುತ್ತಿರುವ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನಸಭೆಯಿಂದಚುನಾಯಿತರಾದವರು):-

1499 (1672) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಎಸ್.ಎಸ್.ಎಲ್.ಸಿ. ಮತ್ತು ಪಿ.ಯು.ಸಿ ಯ ವಿದ್ಯಾರ್ಥಿಗಳು ವಾರ್ಷಿಕ ಪರೀಕ್ಷೆಗೆ ಹಾಜರಾಗುತ್ತಿರುವ ಸಮಯದಲ್ಲಿ ಪರೀಕ್ಷಾ ಪ್ರಶ್ನೆ ಪತ್ರಿಕೆಗಳು ಸೋರಿಕೆಯಾಗುತ್ತಿರುವ ಬಗ್ಗೆ ಪತ್ರಿಕಾ ಮಾಧ್ಯಮಗಳಲ್ಲಿ ವರದಿಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಪ್ರಶ್ನೆ ಪತ್ರಿಕೆ ಸೋರಿಕೆಯಾಗದಂತೆ ತಡೆಯಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಇ) ಪರೀಕ್ಷಾ ಅವ್ಯವಹಾರ ಮಾಡುವವರ ವಿರುದ್ಧ ಕಠಿಣ ಕಾನೂನು ತರಲು ಸರ್ಕಾರ ನಿರ್ಧರಿಸಿದೆಯೇ ; ಪ್ರಸ್ತುತ ಪರೀಕ್ಷಾ ಅವ್ಯವಹಾರ ಮಾಡುವವರ ವಿರುದ್ಧ ಸರ್ಕಾರ ಯಾವ ಕ್ರಮ ಕೈಗೊಳ್ಳಲಾಗುತ್ತಿದೆ?